

# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: | 602 |
| ಮಾನ್ಯ ಸದಸ್ಯರ ಹೆಸರು | ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸುವ ಸಚಿವರು | ಉಪ ಮುಖ್ಯಮಂತ್ರಿಗಳು (ಉನ್ನತ ಶಿಕ್ಷಣ) |
| ಉತ್ತರಿಸಬೇಕಾದ ದಿನಾಂಕ | 14-12-2020 |

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| (ಅ) | ರಾಜ್ಯದಲ್ಲಿ ಸರ್ಕಾರಿ ಸ್ವಾಮ್ಯದಲ್ಲಿರುವ ವಿಶ್ವವಿದ್ಯಾಲಯಗಳ ಸಂಖ್ಯೆ ಎಷ್ಟು; | ರಾಜ್ಯದಲ್ಲಿ ಸಾರ್ವಜನಿಕ ವಿಶ್ವವಿದ್ಯಾನಿಲಯಗಳ ಸಂಖ್ಯೆ 23. |
| (ಆ) | ಈ ವಿಶ್ವವಿದ್ಯಾಲಯಗಳಲ್ಲಿ ಎಷ್ಟು ಜನ ಉಪಕುಲಪತಿಗಳು ಖಾಯಂ ಆಗಿ ಸೇವೆ ಸಲ್ಲಿಸುತ್ತಿದ್ದಾರೆ; ಹಾಗೂ ಹಂಗಾಮಿಯಾಗಿ ಸೇವೆ ಸಲ್ಲಿಸುತ್ತಿರುವವರ ಸಂಖ್ಯೆ ಎಷ್ಟು; | ವಿಶ್ವವಿದ್ಯಾನಿಲಯಗಳಲ್ಲಿ "ಉಪಕುಲಪತಿಗಳು" ಹುದ್ದೆಯು ಅಸ್ತಿತ್ವದಲ್ಲಿರುವುದಿಲ್ಲ. ರಾಜ್ಯದಲ್ಲಿನ ಸಾರ್ವಜನಿಕ ವಿಶ್ವವಿದ್ಯಾನಿಲಯಗಳ ಪೈಕಿ 19 ವಿಶ್ವವಿದ್ಯಾನಿಲಯಗಳಲ್ಲಿ ಖಾಯಂ ಕುಲಪತಿಗಳು ಮತ್ತು 04 ವಿಶ್ವವಿದ್ಯಾನಿಲಯಗಳಲ್ಲಿ ಪ್ರಭಾರ ಕುಲಪತಿಗಳು ಸೇವೆ ಸಲ್ಲಿಸುತ್ತಿದ್ದಾರೆ. |
| (ಇ) | ಪೂರ್ಣ ಪ್ರಮಾಣದ ಉಪ ಕುಲಪತಿಗಳ ನೇಮಕಾತಿಯ ಅನುಪಸ್ಥಿತಿಯಲ್ಲಿ ವಿಶ್ವವಿದ್ಯಾಲಯದ ಆಡಳಿತ ಮಟ್ಟವು ಕುಸಿಯುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿಲ್ಲ. |
| (ಈ) | ಬಂದಿದ್ದಲ್ಲಿ, ಕಾರ್ಯನಿರ್ವಹಿಸುತ್ತಿರುವ ಉಪ ಕುಲಪತಿಗಳ ಸೇವಾವಧಿ ಮುಗಿಯುತ್ತಿರುವುದರಿಂದ ಹೊಸ ಉಪಕುಲಪತಿಗಳ ನೇಮಕಕ್ಕಾಗಿ ಅವಶ್ಯವಿದ್ದಲ್ಲಿ ನಿಯಮಗಳಿಗೆ ತಿದ್ದುಪಡಿ ತಂದು ವಿಶ್ವವಿದ್ಯಾಲಯದ ಆಡಳಿತ ಸುಧಾರಣೆಗೆ ಕ್ರಮ ಕೈಗೊಳ್ಳಲಾಗುವುದೇ? | ಅನ್ವಯಿಸುವುದಿಲ್ಲ |

ಸಂಖ್ಯೆ: ಇಡಿ 377 ಯುಎನ್‌ಇ 2020

(ಡಾ: ಅಶ್ವಥ್ ನಾರಾಯಣ ಸಿ.ಎನ್.)
ಉಪ ಮುಖ್ಯಮಂತ್ರಿಗಳು
(ಉನ್ನತ ಶಿಕ್ಷಣ. ಐಟಿ & ಬಿಟಿ.
ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ,
ಉದ್ಯಮಶೀಲತೆ ಮತ್ತು ಜೀವನೋಪಾಯ ಇಲಾಖೆ).